ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 17 ನೇ ಮಾರ್ಚ್, 2020

ಬಿ.ಪಿ.ಎಲ್, ಎ.ಪಿ.ಎಲ್ ಮತ್ತು ಅಂತ್ಯೋದಯ ಪಡಿತರ ಚೀಟಿ ಬಗ್ಗೆ

ಶ್ರೀ ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ):-

1060 (1238) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಬಿ.ಪಿ.ಎಲ್, ಎ.ಪಿ.ಎಲ್ ಮತ್ತು ಅಂತ್ಯೋದಯ ಯೋಜನೆಯಲ್ಲಿನ ಒಟ್ಟು ಫಲಾನುಭವಿಗಳ ಸಂಖ್ಯೆ ಎಷ್ಟು; (ವರ್ಗವಾರು ವಿವರ ನೀಡುವುದು)

(ಆ) ಸದರಿ ಯೋಜನೆಗಳ ಮಾನದಂಡಗಳೇನು;

(ಇ) ಸದರಿ ಯೋಜನೆಯಡಿ ಪ್ರತಿ ಫಲಾನುಭವಿಗಳಿಗೆ ಮಾಸಿಕ ನೀಡುತ್ತಿರುವ ಆಹಾರ ಧಾನ್ಯಗಳ ಪ್ರಮಾಣವೆಷ್ಟು; (ವರ್ಗವಾರು ವಿವರ ನೀಡುವುದು)

(ಈ) ಕಳಪೆ ಆಹಾರ ಧಾನ್ಯಗಳನ್ನು ಪೂರೈಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಉ) ಕಳಪೆ ಆಹಾರ ಧಾನ್ಯಗಳ ಪೂರೈಕೆ ಬಗ್ಗೆ ಬಂದಿರುವ ದೂರುಗಳ ಸಂಖ್ಯೆ ಎಷ್ಟು; ತೆಗೆದುಕೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಊ) ಮೇಲ್ಕಂಡ ಯೋಜನೆಗಳಲ್ಲಿ ನಕಲಿ ಪಡಿತರ ಚೀಟಿಗಳನ್ನು ಪಡೆದಿರುವವರು ಇದ್ದಾರೆಯೇ;

(ಋ) ಹಾಗಾದರೆ, ಅವರುಗಳ ಸಂಖ್ಯೆ ಎಷ್ಟು ಹಾಗೂ ಅವರ ಮೇಲೆ ಸರ್ಕಾರ ತೆಗೆದುಕೊಂಡ ಕ್ರಮಗಳೇನು?